ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತನೆಯ ಅಧಿವೇಶನ
ಬುಧವಾರ, ದಿನಾಂಕ : 11 ನೇ ಮಾರ್ಚ್, 2020

ಕೆಲವು ಬುಡಕಟ್ಟು ಜನಾಂಗಗಳನ್ನು ಪರಿಶಿಷ್ಟ ಪಂಗಡಕ್ಕೆ ಸೇರಿಸುವ ಕುರಿತು

ಶ್ರೀ ಬಸವರಾಜ ಶಿವಲಿಂಗಪ್ಪ ಹೊರಟ್ಟಿ (ಶಿಕ್ಷಕರ ಕ್ಷೇತ್ರ) :-

576 (867) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಮತ್ತು ಸಮಾಜ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬುಡಕಟ್ಟು ಜನಾಂಗಗಳಾದ ಟೋಕರಿ ಕೋಳಿ, ಢೋರ ಕೋಳಿ, ಕೋಯಾ ಜನಾಂಗವನ್ನು ಪರಿಶಿಷ್ಟ ಪಂಗಡಕ್ಕೆ ಸೇರಿಸಬೇಕೆಂದು ಹಲವಾರು ಸಮುದಾಯದ ಸಂಘಟನೆಗಳು ಒತ್ತಾಯ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಹಾಗಿದ್ದಲ್ಲಿ, ಸರ್ಕಾರವು ಈ ಸಂಬಂಧ ಯಾವ ಕ್ರಮ ಕೈಗೊಂಡಿದೆ;

(ಇ) 1950ರಲ್ಲಿ ಕೇಂದ್ರ ಸರ್ಕಾರದ ಜಾತಿ ಪಟ್ಟಿ 22 ರಲ್ಲಿ ಪರಿಶಿಷ್ಟ ಪಂಗಡದಲ್ಲಿ ಈ ಮೇಲ್ಕಂಡ ಜನಾಂಗದವರನ್ನು ಸೇರಿಸಲಾಗಿದೆಯೇ; ಹಾಗಿದ್ದರೆ ಸರ್ಕಾರವು ಯಾವ ಕ್ರಮ ಕೈಗೊಂಡಿದೆ ;

(ಈ) ಸಂವಿಧಾನದ ಅನುಸೂಚಿತ ಬುಡಕಟ್ಟುಗಳ ಆದೇಶದಂತೆ ಇವರು ಪರಿಶಿಷ್ಟ ಪಂಗಡಕ್ಕೆ ಸೇರಿದವಾರಾಗಿದ್ದು, ಇವರಿಗೆ ಪರಿಶಿಷ್ಟ ಪಂಗಡದ ಜಾತಿ ಪ್ರಮಾಣ ಪತ್ರ ನೀಡಲು ಸರ್ಕಾರಕ್ಕೆ ಇರುವ ತೊಂದರೆ ಏನು ;

(ಉ) ಈ ಸಮಸ್ಯೆಯನ್ನು ಸರ್ಕಾರವು ಯಾವ ಕಾಲಮಿತಿಯೊಳಗೆ ಬಗೆಹರಿಸಿ ಅನುಕೂಲ ಮಾಡಿಕೊಡಲಿದೆ ? (ವಿವರವಾದ ಮಾಹಿತಿ ನೀಡುವುದು)